ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ: 14ನೇ ಡಿಸೆಂಬರ್, 2020

ಮೈಸೂರು ಮತ್ತು ಬೆಂಗಳೂರು ವಿಭಾಗದ ಮುಖ್ಯ ಶಿಕ್ಷಕರಿಗೆ 20 ವರ್ಷಗಳ ಕಾಲಮಿತಿ ವೇತನ ಬಡ್ತಿ ನೀಡಿಕೆ ಕುರಿತು

ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ):-

552(688) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಧಾರವಾಡ ಮತ್ತು ಕಲಬುರಗಿ ವಿಭಾಗದಲ್ಲಿ ಮುಖ್ಯ ಶಿಕ್ಷಕರಾಗಿ ನೇಮಕಗೊಂಡು, ಒಂದೇ ಹುದ್ದೆಯಲ್ಲಿ 20 ವರ್ಷಗಳ ಕಾಲ ಸೇವೆ ಸಲ್ಲಿಸಿದ ಮುಖ್ಯ ಶಿಕ್ಷಕರಿಗೆ 20 ವರ್ಷದ ಕಾಲಮಿತಿ ವೇತನ ಬಡ್ತಿ ನೀಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಮೈಸೂರು ಮತ್ತು ಬೆಂಗಳೂರು ವಿಭಾಗದಲ್ಲಿ ಮುಖ್ಯ ಶಿಕ್ಷಕರಾಗಿ ನೇಮಕಗೊಂಡು, ಒಂದೇ ಹುದ್ದೆಯಲ್ಲಿ 20 ವರ್ಷಗಳಿಂದ ಕಾರ್ಯನಿರ್ವಹಿಸಿರುವ ಮುಖ್ಯ ಶಿಕ್ಷಕರಿಗೆ 20 ವರ್ಷಗಳ ಕಾಲಮಿತಿ ವೇತನ ಬಡ್ತಿ ನೀಡದೇ ಇರಲು ಕಾರಣಗಳೇನು ; (ವಿವರ ಒದಗಿಸುವುದು)

(ಇ) ಯಾವ ಕಾಲಮಿತಿಯೊಳಗೆ ಸದರಿ ಕಾಲಮಿತಿ ವೇತನ ಬಡ್ತಿಯನ್ನು ನೀಡಲಾಗುವುದು ?